# ಕರ್ನಾಟಕ ವಿಧಾನ ಪರಿಷತ್ತು

ಸದಸ್ಯರ ಹೆಸರು : ಶ್ರೀ. ಹೆಚ್.ಎಂ ರೇವಣ್ಣ (ವಿಧಾನ ಸಭೆಯಿಂದ ಚುನಾಯಿತರಾದವರು)

ಚುಕ್ಕೆ ರಹಿತ ಪ್ರಶ್ನೆ ಸಂಖ್ಯೆ : **1615**

ಉತ್ತರ ದಿನಾಂಕ : **20.03.2020**

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ ಕುಡಿಯುವ ನೀರಿನ ಸಮಸ್ಯೆ ಹೆಚ್ಚಾಗುತ್ತಿರುವುದರಿಂದ ಕೊಳವೆ ಬಾವಿಗಳನ್ನು ಕೊರೆದು ಪಂಪ್ ಮೋಟಾರ್ ಅಳವಡಿಸಿ ವಿದ್ಯುದ್ದೀಕರಣಗೊಳಿಸಲು ಪ್ರತಿ ಘಟಕಕ್ಕೆ ನಿಗದಿಪಡಿಸಿರುವ ಅನುದಾನ ಎಷ್ಟು; | ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ ಕುಡಿಯುವ ನೀರಿನ ಸಮಸ್ಯೆ ಹೆಚ್ಚಾಗುತ್ತಿರುವುದರಿಂದ ಕೊಳವೆ ಬಾವಿಗಳನ್ನು ಕೊರೆದು ಪಂಪ್ ಮೋಟಾರ್ ಅಳವಡಿಸಿ ವಿದ್ಯುದ್ದೀಕರಣಗೊಳಿಸಲು ಘಟಕವಾರು ಅನುದಾನವನ್ನು ಈ ಇಲಾಖೆಯಿಂದ ನಿಗದಿಪಡಿಸಲಾಗಿರುವುದಿಲ್ಲ. |
| ಆ) | ಸರ್ಕಾರ 2018-19ನೇ ಸಾಲಿನಲ್ಲಿ ಗ್ರಾಮ ಪಂಚಾಯತಿಗಳಿಗೆ ಕುಡಿಯುವ ನೀರಿನ ಸಮಸ್ಯೆಗಳನ್ನು ಬಗೆಹರಿಸಲು ಬಿಡುಗಡೆ ಮಾಡಲಾದ ಅನುದಾನ ಅತ್ಯಲ್ಪವಾಗಿರುವುದರಿಂದ ಕೊರೆದ ಕೊಳವೆ ಬಾವಿಗಳಿಗೆ ಪಂಪ್ ಮೋಟಾರ್ ಹಾಗೂ ವಿದ್ಯುದ್ದೀಕರಣ ಕಾಮಗಾರಿಗಳನ್ನು ಕೈಗೊಳ್ಳದೇ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಇಲಾಖಾ ವತಿಯಿಂದ ಕೊಳವೆ ಬಾವಿಗಳಿಗೆ ಅನುಮೋದನೆ ನೀಡುವಾಗ ಕುಡಿಯುವ ನೀರು ಸರಬರಾಜಿಗೆ ಅಗತ್ಯವಾಗಿ ಬೇಕಾಗುವ ಎಲ್ಲಾ ಅಂಶಗಳನ್ನು ಒಳಗೊಂಡಂತೆ ಅನುಮೋದನೆ ನೀಡಲಾಗಿರುತ್ತದೆ.<br><br>ಕೆಲವು ಪ್ರಕರಣಗಳಲ್ಲಿ ಪಂಪ್ ಮೋಟಾರ್ ಹಾಗೂ ವಿದ್ಯುದ್ದೀಕರಣ ಕಾಮಗಾರಿಗಳನ್ನು ಕೈಗೊಳ್ಳದೇ ಇರುವುದು ಸರ್ಕಾರದ ಗಮನಕ್ಕೆ ಬಂದಿದೆ. |
| ಇ) | ಹಾಗಿದ್ದಲ್ಲಿ, ಈ ಸಮಸ್ಯೆಯನ್ನು ಬಗೆಹರಿಸಲು 2019-20ನೇ ಸಾಲಿನಲ್ಲಿ ಹೆಚ್ಚುವರಿ ಅನುದಾನವನ್ನು ಬಿಡುಗಡೆ ಮಾಡಲಾಗುವುದೇ; | ಪಂಪ್ ಮೋಟಾರ್ ಹಾಗೂ ವಿದ್ಯುದ್ದೀಕರಣ ಕಾಮಗಾರಿಗಳನ್ನು ಕೈಗೊಳ್ಳದೇ ಇರುವುದನ್ನು ಬಗೆಹರಿಸಲು ನಿಯಮಾನುಸಾರ ಪ್ರಸ್ತಾವನೆಗಳನ್ನು ಪಡೆದು ಕ್ರಮ ಕೈಗೊಳ್ಳಲಾಗುವುದು. |
| ಈ) | ಗ್ರಾಮ ಪಂಚಾಯತಿಗಳಲ್ಲಿ ಸೋಲಾರ್ ದೀಪಗಳನ್ನು ಅಳವಡಿಸುವ ಉದ್ದೇಶ ಸರ್ಕಾರಕ್ಕೆ ಇದೆಯೇ; | ಸರ್ಕಾರಕ್ಕೆ ಇದೆ. |
| ಉ) | ಹಾಗಿದ್ದಲ್ಲಿ, ಪ್ರತಿ ಗ್ರಾಮ ಪಂಚಾಯತಿಗಳಲ್ಲಿ ಸೋಲಾರ್ ದೀಪಗಳನ್ನು ಅಳವಡಿಸಲು ನಿಗದಿಪಡಿಸಿರುವ ಅನುದಾನ ಎಷ್ಟು? | ಗ್ರಾಮ ಪಂಚಾಯತ್‌ಗಳ 14/15ನೇ ಹಣಕಾಸು ಯೋಜನೆ ಮತ್ತು ಗ್ರಾಮ ಪಂಚಾಯತಿಗಳ ಸ್ಥಳೀಯ ಸಂಪನ್ಮೂಲದಲ್ಲಿ ಅನುದಾನ ಕಲ್ಪಿಸಿಕೊಂಡು ಸೌರ ವಿದ್ಯುತ್ ದೀಪಗಳನ್ನು ಅನುಷ್ಠಾನಗೊಳಿಸಲು ಉದ್ದೇಶಿಸಿದೆ. |

ಸಂ.ಗ್ರಾಕುನೀ&ನೈಇ/124/ಗ್ರಾನೀಸ(5)/2020

(ಕೆ. ಎಸ್. ಈಶ್ವರಪ್ಪ)

ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು